ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತೆರಡನೆಯ ಅಧಿವೇಶನ

ಮಂಗಳವಾರ, ದಿನಾಂಕ : 15 ನೇ ಡಿಸೆಂಬರ್, 2020

ರಾಜ್ಯದಲ್ಲಿ ಪಡಿತರ ವಿತರಣಾ ವ್ಯವಸ್ಥೆಯ ಕುರಿತು

ಶ್ರೀ ಪಿ. ಆರ್. ರಮೇಶ್(ನಾಮನಿರ್ದೇಶನ ಹೊಂದಿದವರು) –

708 (849) ಮಾನ್ಯ ಆಹಾರ ಮತ್ತು ನಾಗರಿಕ ಸರಬರಾಜು ಹಾಗೂ ಗ್ರಾಹಕರ ವ್ಯವಹಾರಗಳ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ –

(ಅ) ರಾಜ್ಯದಲ್ಲಿ ಮಾರ್ಚ್ 2018ರ ವರೆಗೆ ಪಡಿತರ ವಿತರಣಾ ವ್ಯವಸ್ಥೆಯಡಿಯಲ್ಲಿ ಬಡತನ ರೇಖೆಗಿಂತ ಕೆಳಗೆ ಇರುವ ಸಾರ್ವಜನಿಕ ಪ್ರತಿ ವ್ಯಕ್ತಿ/ಕುಟುಂಬಗಳಿಗೆ ಎಷ್ಟು ಪ್ರಮಾಣದ ಆಹಾರ ಧಾನ್ಯಗಳನ್ನು ವಿತರಿಸಲಾಗುತ್ತಿತ್ತು; (ವಿವರ ನೀಡುವುದು)

(ಆ) ಪ್ರಸ್ತುತ ಪಡಿತರ ವಿತರಣಾ ವ್ಯವಸ್ಥೆಯಡಿಯಲ್ಲಿ ಬಡತನ ರೇಖೆಗಿಂತ ಕೆಳಗೆ ಇರುವ ಸಾರ್ವಜನಿಕ ಪ್ರತಿ ವ್ಯಕ್ತಿ/ಕುಟುಂಬಗಳಿಗೆ ಎಷ್ಟು ಪ್ರಮಾಣದ ಆಹಾರ ಧಾನ್ಯಗಳನ್ನು ವಿತರಿಸಲಾಗುತ್ತಿದೆ; (ವಿವರ ನೀಡುವುದು)

(ಇ) ರಾಜ್ಯದಲ್ಲಿ ಪ್ರಸ್ತುತ ಪಡಿತರ ವಿತರಣಾ ವ್ಯವಸ್ಥೆಯಡಿಯಲ್ಲಿ ಬಡತನ ರೇಖೆಗಿಂತ ಕೆಳಗೆ ಇರುವ ವ್ಯಕ್ತಿ/ಕುಟುಂಬಗಳ ಸಂಖ್ಯೆ ಎಷ್ಟು; (ವಿವರ ನೀಡುವುದು)

(ಈ) ಮುಂದಿನ ದಿನಗಳಲ್ಲಿ ಪಡಿತರ ವಿತರಣಾ ವ್ಯವಸ್ಥೆಯಡಿಯಲ್ಲಿ ಯಾವುದಾದರೂ ಬದಲಾವಣೆ ತರುವ ಬಗ್ಗೆ ಸರ್ಕಾರ ಚಿಂತಿಸಿದೆಯೇ? (ವಿವರ ನೀಡುವುದು)